ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತಮೂರನೆಯ ಅಧಿವೇಶನ

ಮಂಗಳವಾರ, ದಿನಾಂಕ: 2ನೇ ಫೆಬ್ರುವರಿ, 2021

ಬೇಬಿ ಬೆಟ್ಟದಲ್ಲಿ ಕಲ್ಲು ಗಣಿಗಾರಿಕೆ ಕುರಿತು

ಶ್ರೀ ಎನ್.ರವಿಕುಮಾರ್ (ವಿಧಾನ ಸಭೆಯಿಂದ ಚುನಾಯಿತರಾದವರು) :-

222(237) ಮಾನ್ಯ ಗಣಿ ಮತ್ತು ಭೂ ವಿಜ್ಞಾನ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಮಂಡ್ಯ ಜಿಲ್ಲೆಯ ಪಾಂಡವಪುರ ತಾಲ್ಲೂಕು ಬೇಬಿ ಬೆಟ್ಟದಲ್ಲಿ ಕಲ್ಲು ಗಣಿಗಾರಿಕೆ ಮಾಡಲು ಅನುಮತಿ ನೀಡಲಾಗಿದೆಯೇ ; ಎಷ್ಟು ವರ್ಷಗಳಿಂದ ಇಲ್ಲಿ ಕಲ್ಲು ಗಣಿಗಾರಿಕೆ ಮಾಡಲಾಗುತ್ತಿದೆ;

(ಆ) ಸ್ಫೋಟಕ ಸಿಡಿಸಿ ಕಲ್ಲು ಗಣಿಗಾರಿಕೆ ಮಾಡಲು ಯಾವ ಯಾವ ಇಲಾಖೆಯಿಂದ ಅನುಮತಿ ಬೇಕಾಗಿದೆ ; ಮಂಡ್ಯ ಜಿಲ್ಲೆಯ ಪಾಂಡವಪುರ ತಾಲ್ಲೂಕು ಬೇಬಿ ಬೆಟ್ಟದಲ್ಲಿ ಕಲ್ಲು ಗಣಿಗಾರಿಕೆ ಮಾಡಲು ಅನುಮತಿ ನೀಡಲಿಲ್ಲವೆಂದಾದಲ್ಲಿ ಇದುವರೆಗೆ ಎಷ್ಟು ಜನರ ಮೇಲೆ ಕೇಸು ದಾಖಲಿಸಿ ಕ್ರಮ ಕೈಗೊಳ್ಳಲಾಗಿದೆ ;

(ಇ) ಜಿಲ್ಲಾಡಳಿತದ ಗಮನಕ್ಕೆ ಬಾರದೆ ಕಲ್ಲು ಗಣಿಗಾರಿಕೆ ನಡೆಯಲು ಹೇಗೆ ಸಾಧ್ಯ ; ಅಕ್ರಮ ಗಣಿಗಾರಿಕೆಯೆಂದಾದಲ್ಲಿ ನೇರವಾಗಿ ಕ್ರಮ ಕೈಗೊಳ್ಳಲು ಇರುವ ಸಮಸ್ಯೆಗಳೇನು ?